ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಧಾರವಾಡ, ಗದಗ, ಹಾವೇರಿ ಜಿಲ್ಲೆಗಳಲ್ಲಿರುವ ಕೊರೋನ ಸಕ್ರೀಯ ಪ್ರಕರಣಗಳು

ಶ್ರೀ ಮಾನೆ ಶ್ರೀನಿವಾಸ್(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) -

57 (17) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಧಾರವಾಡ, ಗದಗ ಹಾಗೂ ಹಾವೇರಿ ಜಿಲ್ಲೆಗಳಲ್ಲಿ ಸಕ್ರೀಯವಿರುವ ಒಟ್ಟು ಕೋವಿಡ್ ಪ್ರಕರಣಗಳೆಷ್ಟು; (ಜಿಲ್ಲಾವಾರು ಮಾಹಿತಿ ಒದಗಿಸುವುದು)

(ಆ) ಸದರಿ ಜಿಲ್ಲೆಗಳಲ್ಲಿ ಆಸ್ಪತ್ರೆಯಿಂದ ಬಿಡುಗಡೆಗೊಂಡಿರುವ ಒಟ್ಟು ರೋಗಿಗಳ ಸಂಖ್ಯೆ ಎಷ್ಟು; ಹಾಗೂ ಕೋವಿಡ್ ರೋಗಿಗಳಿಗೆ ಸರ್ಕಾರದಿಂದ ಭರಿಸಿರುವ ದೈನಂದಿನ ಖರ್ಚು-ವೆಚ್ಚವೆಷ್ಟು; (ಜಿಲ್ಲಾವಾರು ಮಾಹಿತಿ ಒದಗಿಸುವುದು)

(ಇ) ಮೇಲ್ಕಂಡ ಜಿಲ್ಲೆಗಳಲ್ಲಿ ಕೋವಿಡ್ ರೋಗಿಗಳಿಗೆ ಕೋವಿಡ್ ಕೇರ್ ಸೆಂಟರ್ ಹಾಗೂ ಆಸ್ಪತ್ರೆಗಳಲ್ಲಿ ಒದಗಿಸಲಾಗುತ್ತಿದ್ದ ಸೌಲಭ್ಯಗಳೇನು; (ಜಿಲ್ಲಾವಾರು ಮಾಹಿತಿ ಒದಗಿಸುವುದು)

(ಈ) ಸದರಿ ಜಿಲ್ಲೆಗಳಲ್ಲಿ ಕೋವಿಡ್ ರೋಗಿಗಳ ಚಿಕಿತ್ಸೆ ಹಾಗೂ ಊಟ ಮತ್ತು ವಸತಿ ಸೌಕರ್ಯಕ್ಕಾಗಿ ಖರ್ಚಾಗುತ್ತಿದ್ದ ಒಟ್ಟು ಖರ್ಚು ಎಷ್ಟು? (ಜಿಲ್ಲಾವಾರು ಮಾಹಿತಿ ಒದಗಿಸುವುದು)